# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 750
ಸದಸ್ಯರ ಹೆಸರು : ಶ್ರೀ ಶಶಿಲ್ ಜಿ. ನಮೋಶಿ (ಶಿಕ್ಷಕರ ಕ್ಷೇತ್ರ)
ಉತ್ತರಿಸುವ ದಿನಾಂಕ : 05-03-2021.
ಉತ್ತರಿಸುವವರು : ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು.

| ಕ್ರಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ಕಳೆದ 03 ವರ್ಷಗಳಲ್ಲಿ ಕಲ್ಯಾಣ ಕರ್ನಾಟಕ ಭಾಗದಲ್ಲಿ ಎಷ್ಟು ಹೊಸ ಗ್ರಾಮ ಪಂಚಾಯಿತಿಗಳನ್ನು ಸೃಜಿಸಲಾಗಿದೆ; (ಜಿಲ್ಲಾವಾರು ಮಾಹಿತಿ ನೀಡುವುದು) | ಕಳೆದ 3 ವರ್ಷಗಳಲ್ಲಿ ರಾಜ್ಯದ ಕಲ್ಯಾಣ ಕರ್ನಾಟಕ ಭಾಗದಲ್ಲಿ ಹೊಸದಾಗಿ ಗ್ರಾಮ ಪಂಚಾಯತಿಗಳನ್ನು ಸೃಜಿಸಿರುವುದಿಲ್ಲ. |
| (ಆ) | ಹೊಸ ಗ್ರಾಮ ಪಂಚಾಯಿತಿಗಳನ್ನು ಮಾಡಲು ಇರುವ ಮಾನದಂಡಗಳೇನು; | ಕರ್ನಾಟಕ ಗ್ರಾಮ ಸ್ವರಾಜ್ ಮತ್ತು ಪಂಚಾಯತ್ ಅಧಿನಿಯಮ, 1993 ಪ್ರಕರಣ 4 ರಲ್ಲಿ ಸರ್ಕಾರದ ಸಾಮಾನ್ಯ ಅಥವಾ ವಿಶೇಷ ಆದೇಶಗಳಿಗೊಳಪಟ್ಟು ಜಿಲ್ಲಾಧಿಕಾರಿಗಳು 5000 ಕ್ಕಿಂತ ಕಡಿಮೆ ಇಲ್ಲದ ಮತ್ತು 7000 ಕ್ಕೆ ಹೆಚ್ಚಿಗೆ ಇಲ್ಲದ ಜನಸಂಖ್ಯೆಯುಳ್ಳ ಒಂದು ಗ್ರಾಮವನ್ನು ಅಥವಾ ಗ್ರಾಮಗಳ ಗುಂಪನ್ನು ಒಳಗೊಂಡಿರುವ ಯಾವುದೇ ಪ್ರದೇಶವನ್ನು ಪಂಚಾಯತಿ ಪ್ರದೇಶವೆಂದು ಘೋಷಿಸುವುದು ಯುಕ್ತವೆಂದು ಅಭಿಪ್ರಾಯಪಟ್ಟರೆ, ಮೊದಲೇ ಪ್ರಕಟಣೆ ಹೊರಡಿಸಿದ ತರುವಾಯ ಅಂತಹ ಪ್ರದೇಶವನ್ನು ಪಂಚಾಯತಿ ಪ್ರದೇಶವೆಂದು ಘೋಷಿಸಬಹುದು ಮತ್ತು ಅದರ ಕೇಂದ್ರ ಕಾರ್ಯ ಸ್ಥಾನವನ್ನು ನಿರ್ದಿಷ್ಟಪಡಿಸಬಹುದಾಗಿದೆ. |
| (ಇ) | ರಾಜ್ಯದ ಪ್ರತಿ ಗ್ರಾಮ ಪಂಚಾಯಿತಿಗೂ ಸರ್ಕಾರದಿಂದ ಯಾವ ಯಾವ ಯೋಜನೆಗಳಿಗೆ ಎಷ್ಟು ಅನುದಾನ ನೀಡಲಾಗುತ್ತಿದೆ; (ವಿವರ ನೀಡುವುದು) | ಕೇಂದ್ರ ಮತ್ತು ರಾಜ್ಯ ಸರ್ಕಾರದಿಂದ ಗ್ರಾಮ ಪಂಚಾಯತಿಗಳಿಗೆ ವಾರ್ಷಿಕವಾಗಿ ಸಿಗುವ ಅನುದಾನದ ವಿವರ ಈ ಕೆಳಕಂಡಂತಿದೆ. |

| ಕ್ರ.ಸಂ. | ಯೋಜನೆ / ಕಾರ್ಯಕ್ರಮ | ಅನುದಾನದ ಮೊತ್ತ |
|---|---|---|
| 1 | ಶಾಸನಬದ್ಧ ಅನುದಾನ | ರೂ.10.00-12.00 ಲಕ್ಷಗಳು. |
| 2 | 15ನೇ ಹಣಕಾಸು ಆಯೋಗದ ಅನುದಾನ | ಜನ ಸಂಖ್ಯೆ ಮತ್ತು ಭೌಗೋಳಿಕ ಪ್ರದೇಶದ ಆಧಾರದ ಮೇಲೆ ರೂ. 15.00- 25.00 ಲಕ್ಷಗಳು. |
| 3 | ಮಹಾತ್ಮ ಗಾಂಧಿ ರಾಷ್ಟ್ರೀಯ ಗ್ರಾಮೀಣ ಉದ್ಯೋಗ ಖಾತರಿ ಯೋಜನೆ | ಪ್ರತಿ ಗ್ರಾಮ ಪಂಚಾಯಿತಿಯಲ್ಲಿನ ಕಾರ್ಮಿಕ ಆಯವ್ಯಯ ಆಧರಿಸಿ ಅನುದಾನ ನೀಡಲಾಗುತ್ತಿದೆ. |
| 4 | ಸ್ವಚ್ಛ ಭಾರತ್ ಮಿಷನ್ | ಶೌಚಾಲಯ ನಿರ್ಮಿಸಿಕೊಳ್ಳಲು ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡದ ಫಲಾನುಭವಿಗೆ ರೂ.15,000/- ಮತ್ತು ಸಾಮಾನ್ಯ ಫಲಾನುಭವಿಗೆ ರೂ.12,000/-ಗಳು |

<table>
<tr><td></td><td></td><td>5</td><td>ಮುಖ್ಯ ಮಂತ್ರಿ ಗ್ರಾಮ ವಿಕಾಸ ಯೋಜನೆ</td><td>ಆಯ್ಕೆಯಾದ ಗ್ರಾಮ ಒಂದಕ್ಕೆ ಒಂದು ಕೋಟಿ ರೂಪಾಯಿಗಳು</td><td></td></tr>
<tr><td>(ಈ)</td><td>ಗ್ರಾಮ ಪಂಚಾಯಿತಿಗಳ ಅಡಿಯಲ್ಲಿ ಬರುವ ಕಾಮಗಾರಿಗಳು ಯಾವುವು ಹಾಗೂ ಗ್ರಾಮ ಪಂಚಾಯಿತಿಗಳಿಗೆ ಸಂಬಂಧಪಟ್ಟ ಯೋಜನೆಗಳಾವುವು? (ವಿವರವಾದ ಮಾಹಿತಿ ನೀಡುವುದು)</td><td colspan="4">ಕರ್ನಾಟಕ ಗ್ರಾಮ ಸ್ವರಾಜ್ ಮತ್ತು ಪಂಚಾಯತ್ ರಾಜ್ ಅಧಿನಿಯಮ, 1993 ರ ಪ್ರಕರಣ 58 ರಂತೆ ಗ್ರಾಮ ಪಂಚಾಯತಿ ವ್ಯಾಪ್ತಿಯಲ್ಲಿ ಸಾರ್ವಜನಿಕ ರಸ್ತೆಗಳ ನಿರ್ಮಾಣ, ದುರಸ್ತಿ ಮತ್ತು ನಿರ್ವಹಣೆ, ನೈರ್ಮಲ್ಯ ವ್ಯವಸ್ಥೆ ಮತ್ತು ಸರಿಯಾದ ಚರಂಡಿ ವ್ಯವಸ್ಥೆ ಹಾಗೂ ನೀರು ಪೂರೈಕೆ ಕಾಮಗಾರಿಗಳನ್ನು ಕೈಗೊಳ್ಳಬಹುದಾಗಿದೆ.<br><br>ಗ್ರಾಮ ಪಂಚಾಯತಿಗಳಲ್ಲಿ ಮಹಾತ್ಮ ಗಾಂಧಿ ರಾಷ್ಟ್ರೀಯ ಗ್ರಾಮೀಣ ಉದ್ಯೋಗ ಖಾತರಿ ಯೋಜನೆ, ಸ್ವಚ್ಛ ಭಾರತ್ ಮಿಷನ್, ವಿವಿಧ ವಸತಿ ಯೋಜನೆಗಳಾದ ಬಸವ ವಸತಿ, ಅಂಬೇಡ್ಕರ್ ವಸತಿ, ಪ್ರಧಾನ ಮಂತ್ರಿ ಆವಾಸ್ ಯೋಜನೆ ಮತ್ತು 15ನೇ ಹಣಕಾಸು ಆಯೋಗದ ಅನುದಾನದ ಕಾರ್ಯಕ್ರಮ / ಯೋಜನೆಗಳನ್ನು ಅನುಷ್ಠಾನಗೊಳಿಸಲಾಗುತ್ತಿದೆ.</td></tr>
</table>

ಸಂ. ಗ್ರಾಅಪ 86 ಗ್ರಾಪಂಅ 2021

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃದ್ಧಿ ಮತ್ತು ಪಂ.ರಾಜ್ ಸಚಿವರು.

ಕೆ.ಎಸ್. ಈಶ್ವರಪ್ಪ
ಗ್ರಾಮೀಣಾಭಿವೃದ್ಧಿ ಮತ್ತು
ಪಂಚಾಯತ್ ರಾಜ್ ಸಚಿವರು